ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಶುಕ್ರವಾರ, ದಿನಾಂಕ : 06 ನೇ ಮಾರ್ಚ್, 2020

ವಿವಿಧ ಸಂಘ ಸಂಸ್ಥೆಗಳಿಗೆ ಅನುದಾನ ನೀಡಿದ ಬಗ್ಗೆ

ಶ್ರೀ ಘೋಟ್ನೆಕರ ಶ್ರೀಕಾಂತ ಲಕ್ಷ್ಮಣ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

288 (349) ಮಾನ್ಯ ಪ್ರವಾಸೋದ್ಯಮ ಮತ್ತು ಕನ್ನಡ ಮತ್ತು ಸಂಸ್ಕೃತಿ ಹಾಗೂ ಯುವ ಸಬಲೀಕರಣ ಮತ್ತು ಕ್ರೀಡಾ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಕಾರವಾರ ಜಿಲ್ಲೆಯಲ್ಲಿ ಕಳೆದ 5 ವರ್ಷಗಳಲ್ಲಿ ಕನ್ನಡ ಮತ್ತು ಸಂಸ್ಕೃತಿ ಇಲಾಖೆ ವತಿಯಿಂದ ಯಾವ ಯಾವ ಸಂಘ ಸಂಸ್ಥೆಗಳಿಗೆ ಎಷ್ಟು ಅನುದಾನ ಮಂಜೂರು ಮಾಡಲಾಗಿದೆ ; (ಅನುದಾನ ಮಂಜೂರು ಮಾಡಲು ಶಿಫಾರಸ್ಸು ಮಾಡಿರುವವರ ಮಾಹಿತಿಯನ್ನು ತಾಲ್ಲೂಕುವಾರು/ಜಿಲ್ಲಾವಾರು ಮಾಹಿತಿ ನೀಡುವುದು)

(ಆ) ಇಲಾಖೆ ವತಿಯಿಂದ ಸಂಘ ಸಂಸ್ಥೆಗಳಿಗೆ ಅನುದಾನ ಮಂಜೂರು ಮಾಡಲು ಇರುವ ನಿಯಮಗಳೇನು ;

(ಇ) ಸದರಿ ನಿಯಮಾವಳಿಗಳನ್ನು ಪಾಲಿಸದಿರುವ ಸಂಘ ಸಂಸ್ಥೆಗಳಿಗೆ ಅನುದಾನ ಮಂಜೂರು ಮಾಡಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ಹಾಗಿದ್ದಲ್ಲಿ, ನಿಯಮಾವಳಿಗಳನ್ನು ಪಾಲಿಸದೆ ಅನುದಾನ ಪಡೆದಿರುವ ಸಂಘ ಸಂಸ್ಥೆಗಳು ಯಾವುವು ; ಪಡೆದಿರುವ ಅನುದಾನ ಎಷ್ಟು ; (ಕಳೆದ 5 ವರ್ಷಗಳಲ್ಲಿ ಸಂಪೂರ್ಣ ವಿವರ ನೀಡುವುದು)

(ಈ) ಈ ಪ್ರಕರಣದಲ್ಲಿ ಸರ್ಕಾರ ಕೈಗೊಂಡಿರುವ ಕ್ರಮಗಳೇನು ; ನಿಯಮಾವಳಿಗಳನ್ನು ಪಾಲಿಸದಿರುವ ಸಂಘ ಸಂಸ್ಥೆಗಳಿಗೆ ಅನುದಾನ ಮಂಜೂರು ಮಾಡಿದ ಅಧಿಕಾರಿಗಳ ವಿರುದ್ಧ ಕೈಗೊಂಡ ಕ್ರಮಗಳೇನು?